ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಮದ್ದೂರು-ಕೊಪ್ಪ-ನಾಗಮಂಗಲ-ಬೆಳ್ಳೂರು ಕ್ರಾಸ್ ರಸ್ತೆ ಅಭಿವೃದ್ಧಿ ಬಗ್ಗೆ

ಶ್ರೀ ಕೆ.ಟಿ.ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ) :-

226 (201) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮೈಸೂರು-ಬೆಂಗಳೂರು ರಾಷ್ಟ್ರೀಯ ಹೆದ್ದಾರಿಗೆ ಹೊಂದಿಕೊಂಡಂತ್ತಿರುವ ಮದ್ದೂರು-ಶಿವಪುರದ ಮೂಲಕ ಕೊಪ್ಪ-ನಾಗಮಂಗಲ-ಬೆಳ್ಳೂರು ಕ್ರಾಸ್‌ನಲ್ಲಿ ಬೆಂಗಳೂರು -ತುಮಕೂರು ರಸ್ತೆಗೆ ರಾಷ್ಟ್ರೀಯ ಹೆದ್ದಾರಿಗೆ ಸೇರಿರುವ ಈ ರಸ್ತೆ ಅಭಿವೃದ್ಧಿಗೆ ಸರ್ಕಾರ ಅನುಮೋದನೆ ನೀಡಿದೆಯೇ; (ವಿವರ ನೀಡುವುದು)

(ಆ) ಈ ಸಂಪರ್ಕ ರಸ್ತೆಯು ತುಂಬಾ ಹಾಳಾಗಿದ್ದು ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಎರಡು ರಾಷ್ಟ್ರೀಯ ಹೆದ್ದಾರಿಗಳಿಗೆ ಸಂಪರ್ಕಗಳನ್ನು ಕಲ್ಪಿಸುವ ಈ ರಸ್ತೆಯನ್ನು ಅಗಲೀಕರಿಸಿ ಅಭಿವೃದ್ಧಿ ಪಡಿಸಲು ಸರ್ಕಾರ ಕೈಗೊಂಡ ಕ್ರಮಗಳೇನು? (ವಿವರ ನೀಡುವುದು)